# ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 1234 |
| ಮಾನ್ಯ ಸದಸ್ಯರ ಹೆಸರು | ಶ್ರೀ ಎಂ. ನಾರಾಯಣಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) |
| ಉತ್ತರಿಸಬೇಕಾದ ದಿನಾಂಕ | 23.12.2021 |
| ಉತ್ತರಿಸಬೇಕಾದವರು | ಅಬಕಾರಿ ಸಚಿವರು |

| ಕ್ರ ಸಂ | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದ ವಿವಿಧ ಜಿಲ್ಲೆಯ ಹಳ್ಳಿಗಳಲ್ಲಿ ಮದ್ಯವನ್ನು ಅಕ್ರಮವಾಗಿ ಮಾರಾಟ ಮಾಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಸರ್ಕಾರ ಯಾವ ಕ್ರಮ ಕೈಗೊಂಡಿದೆ; | ರಾಜ್ಯದ ಗ್ರಾಮೀಣ ಪ್ರದೇಶಗಳಲ್ಲಿ ಕೆಲವು ವ್ಯಕ್ತಿಗಳು ಸ್ವಲಾಭಕ್ಕಾಗಿ ಅನಧಿಕೃತ ಸ್ಥಳಗಳಲ್ಲಿ ಅಕ್ರಮವಾಗಿ ಮದ್ಯ ಮಾರಾಟ ಮಾಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿರುತ್ತದೆ.<br>ಅಕ್ರಮ ಮದ್ಯ ಮಾರಾಟವನ್ನು ತಡೆಗಟ್ಟಲು ವಲಯ ವ್ಯಾಪ್ತಿಯ ರೂಟ್ ಗಳಲ್ಲಿ ನಿರಂತರವಾಗಿ ಗಸ್ತು ನಡೆಸಲಾಗುತ್ತಿದೆ. ಸದರಿ ಗಸ್ತಿನ ಸಮಯದಲ್ಲಿ ಮತ್ತು ದೂರು ಸ್ವೀಕೃತವಾದಲ್ಲಿ ಅಕ್ರಮವಾಗಿ ಮದ್ಯ ಮಾರಾಟ ಮಾಡುತ್ತಿರುವ ಸ್ಥಳಗಳ ಮೇಲೆ ದಾಳಿ ನಡೆಸಿ ಅಕ್ರಮಗಳು ಕಂಡು ಬಂದಲ್ಲಿ ಅಬಕಾರಿ ಕಾಯ್ದೆ ಮತ್ತು ನಿಯಮಗಳಾನುಸಾರ ಪ್ರಕರಣಗಳನ್ನು ದಾಖಲಿಸಲಾಗುತ್ತಿದೆ. ರಾಷ್ಟ್ರೀಯ ಮತ್ತು ರಾಜ್ಯ ಹೆದ್ದಾರಿಗಳಲ್ಲಿ ನಿಯಮಿತವಾಗಿ ರಸ್ತೆಗಾವಲು ನಡೆಸಿ ಸಂಶಯಾಸ್ಪದ ವಾಹನಗಳನ್ನು ತಪಾಸಣೆಗೆ ಒಳಪಡಿಸಲಾಗುತ್ತಿದೆ. ಜಿಲ್ಲಾ ಮಟ್ಟದಲ್ಲಿ ಜಿಲ್ಲಾಧಿಕಾರಿಗಳ ಅಧ್ಯಕ್ಷತೆಯಲ್ಲಿ ಸ್ಥಾಯಿ ಸಮಿತಿ ಸಭೆಯನ್ನು ಏರ್ಪಡಿಸಿ ಇತರೆ ಇಲಾಖೆಗಳೊಂದಿಗೆ ಸಮನ್ವಯ ಸಾಧಿಸಿ ಅಕ್ರಮ ಹತ್ತಿಕ್ಕಲು ಕ್ರಮ ವಹಿಸುವ ಕುರಿತು ಪೊಲೀಸ್ ವರಿಷ್ಠಾಧಿಕಾರಿಗಳು ಮತ್ತು ಜಿಲ್ಲಾ ಅರಣ್ಯ ಸಂರಕ್ಷಣಾಧಿಕಾರಿಗಳೊಂದಿಗೆ ಜಂಟಿ ಕಾರ್ಯಚರಣೆ ನಡೆಸಲಾಗುತ್ತಿದೆ. ಕರ್ನಾಟಕ ಅಬಕಾರಿ ಕಾಯ್ದೆ |

| | | |
|---|---|---|
| | | 1965 ರ ಕಲಂ 50 ರಂತೆ ಕಾರ್ಯವ್ಯಾಪ್ತಿಯಲ್ಲಿ ನಡೆಯುವ ಅಬಕಾರಿ ಅಕ್ರಮಗಳ ಕುರಿತು ಮಾಹಿತಿ ನೀಡಲು ತಿಳುವಳಿಕೆ ಪತ್ರ ಜಾರಿಗೊಳಿಸಲಾಗಿರುತ್ತದೆ. |
| ಆ) | ಹಳ್ಳಿಗಳಲ್ಲಿ ಅಕ್ರಮವಾಗಿ ಮದ್ಯವನ್ನು ದುಪ್ಪಟ್ಟು ಬೆಲೆಗೆ ಮಾಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಇದರ ವಿರುದ್ಧ ಸರ್ಕಾರ ಯಾವ ಕ್ರಮ ಕೈಗೊಂಡಿದೆ; (ಸಂಪೂರ್ಣ ಮಾಹಿತಿ ನೀಡುವುದು) | ಇಲಾಖೆಯಿಂದ ಮದ್ಯ ಮಾರಾಟಕ್ಕಾಗಿ ನೀಡಲಾಗುವ ಸನ್ನದುಗಳಿಂದ ಕೆಲವು ವ್ಯಕ್ತಿಗಳು ಮದ್ಯವನ್ನು ಖರೀದಿಸಿ ಸ್ವಲಾಭಕ್ಕಾಗಿ ಗ್ರಾಮೀಣ ಪ್ರದೇಶಗಳಲ್ಲಿ ಅಕ್ರಮವಾಗಿ ಮದ್ಯವನ್ನು ಹೆಚ್ಚಿನ ಬೆಲೆಗೆ ಮಾರಾಟ ಮಾಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿರುತ್ತದೆ.<br><br>ಇಂತಹ ಅಕ್ರಮವನ್ನು ತಡೆಗಟ್ಟಲು ಕೃತ್ಯಗಳಲ್ಲಿ ತೊಡಗಿದ ವ್ಯಕ್ತಿಗಳನ್ನು ದಸ್ತಗಿರಿ ಮಾಡಿ ಅವರುಗಳ ವಿರುದ್ದ ಅಬಕಾರಿ ಕಾಯ್ದೆಯನ್ವಯ ಮೊಕದ್ದಮೆಗಳನ್ನು ದಾಖಲು ಮಾಡಲಾಗುತ್ತಿದೆ. ಕಳೆದ ಮೂರು ವರ್ಷಗಳಲ್ಲಿ ದಾಖಲು ಮಾಡಲಾದ ಮೊಕದ್ದಮೆಗಳ ವಿವರ ಕೆಳಗಿನಂತಿದೆ; |

| ಕ್ರ.ಸಂ. | ಅಬಕಾರಿ ವರ್ಷ | ದಾಖಲಿಸಿದ ಪ್ರಕರಣಗಳು | |
|---|---|---|---|
| | | ಕಲಂ 32 | ಕಲಂ 15ಎ |
| 1 | 2019-20 | 3549 | 18377 |
| 2 | 2020-21 | 3481 | 22299 |
| 3 | 2021-22 (ನವಂಬರ್ ಅಂತ್ಯದವರೆಗೆ) | 1206 | 10821 |

| | | |
|---|---|---|
| ಇ) | ಹಳ್ಳಿಗಳಲ್ಲಿ ಮದ್ಯ ಮಾರಾಟ ನಡೆಯುತ್ತಿದ್ದರೂ ಅದನ್ನು ತಡೆಯದೆ ಅದಕ್ಕೆ ಸಹಕರಿಸಿದ ಅಬಕಾರಿ ಅಧಿಕಾರಿಗಳ ವಿರುದ್ಧ ಸರ್ಕಾರ ಯಾವ ಕ್ರಮ ಕೈಗೊಳ್ಳಲಾಗಿದೆ; ಕ್ರಮ ಕೈಗೊಂಡಿಲ್ಲವೆಂದರೆ ಯಾವ ಕಾಲ ಮಿತಿಯಲ್ಲಿ ಕ್ರಮ ಕೈಗೊಳ್ಳಲಾಗುವುದು; (ಸೂಕ್ತ ಮಾಹಿತಿ ನೀಡುವುದು) | ಗ್ರಾಮೀಣ ಪ್ರದೇಶದಲ್ಲಿ ಅಕ್ರಮ ಮದ್ಯ ಮಾರಾಟವನ್ನು ಹತ್ತಿಕ್ಕಲು ಇಲಾಖೆಯ ಸಿಬ್ಬಂದಿಗಳು ಅವಿರತ ಶ್ರಮವಹಿಸಿ ಅಂತಹ ಕೃತ್ಯಗಳಲ್ಲಿ ತೊಡಗಿದ ವ್ಯಕ್ತಿಗಳ ವಿರುದ್ಧ ನಿರ್ದಾಕ್ಷಿಣ್ಯವಾಗಿ ಕರ್ನಾಟಕ ಅಬಕಾರಿ ಕಾಯ್ದೆ ಅನ್ವಯ ಪ್ರಕರಣಗಳನ್ನು ದಾಖಲಿಸಿ ಕ್ರಮ ಕೈಗೊಳ್ಳಲಾಗುತ್ತಿದೆ. |

| | | |
|---|---|---|
| ಈ) | ಆಂದ್ರದ ಗಡಿ ಮತ್ತು ತಮಿಳುನಾಡಿನ ಗಡಿ ಹೊಂದಿಕೊಂಡಿರುವ ಜಿಲ್ಲೆಗಳಲ್ಲಿ ಹಲವು ಭಾಗಗಳಲ್ಲಿ ಅಕ್ರಮವಾಗಿ ಮದ್ಯ ಸಾಗಾಣೆ ನಡೆಯುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಇದಕ್ಕೆ ಸಹಕರಿಸುತ್ತಿರುವ ಅಬಕಾರಿ ಅಧಿಕಾರಿಗಳು ಕಣ್ಮುಚ್ಚಿ ಕುಳಿತಿದ್ದು, ಎಲ್ಲಾ ಅಕ್ರಮಗಳನ್ನು ತಡೆಯಲು ಸರ್ಕಾರ ಯಾವ ಕ್ರಮ ಕೈಗೊಂಡಿದೆ; ಯಾವ ಕಾಲ ಮಿತಿಯಲ್ಲಿ ಈ ಅಕ್ರಮಗಳನ್ನು ತಡೆಯಲು ಸರ್ಕಾರ ಕ್ರಮವಹಿಸುವುದು? | ಆಂಧ್ರಪ್ರದೇಶ ಹಾಗೂ ತಮಿಳುನಾಡು ರಾಜ್ಯಗಳಲ್ಲಿ ಮದ್ಯ ಮಾರಾಟ ಬೆಲೆಯು ಕರ್ನಾಟಕ ರಾಜ್ಯಕ್ಕಿಂತ ಗಣನೀಯವಾಗಿ ಹೆಚ್ಚಿರುವುದರಿಂದ ರಾಜ್ಯದ ಗಡಿ ಭಾಗದಲ್ಲಿ ಮದ್ಯದ ಕಳ್ಳಸಾಗಾಣಿಕೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿರುತ್ತದೆ. ಇಲಾಖೆಯ ಅಧಿಕಾರಿ ಸಿಬ್ಬಂದಿಯವರು ಅಂತರರಾಜ್ಯ ಮದ್ಯ ಕಳ್ಳಸಾಗಾಣಿಕೆಯನ್ನು ತಡೆಗಟ್ಟಲು ರಾಷ್ಟ್ರೀಯ ಮತ್ತು ರಾಜ್ಯ ಹೆದ್ದಾರಿಗಳಲ್ಲಿ ನಿಯಮಿತವಾಗಿ ರಸ್ತೆಗಾವಲು ನಡೆಸಿ ಸಂಶಯಾಸ್ಪದ ವಾಹನಗಳನ್ನು ತಪಾಸಣೆಗೆ ಒಳಪಡಿಸಿ ಅಕ್ರಮ ಕಂಡುಬಂದಲ್ಲಿ ದೋಷಿತರ ವಿರುದ್ಧ ಕರ್ನಾಟಕ ಅಬಕಾರಿ ಕಾಯ್ದೆ ಅನ್ವಯ ಪ್ರಕರಣಗಳನ್ನು ದಾಖಲಿಸಿ ಕ್ರಮ ಕೈಗೊಳ್ಳುತ್ತಿದ್ದಾರೆ. |

ಆಇ 141 ಇಎಲ್‌ಕ್ಯೂ 2021

(ಕೆ. ಗೋಪಾಲಯ್ಯ)
ಅಬಕಾರಿ ಸಚಿವರು